CPMG / KA / BG-GPO/13/2003-2005



# ಕರ್ನಾಟಕ ರಾಜ್ಯಪತ್ರ

ಅಧಿಕೃತವಾಗಿ ಪ್ರಕಟಿಸಲಾದುದು

| ಸಂಪುಟ ೧೪೦ | ಬೆಂಗಳೂರು, ಗುರುವಾರ, ಮಾರ್ಚ್ ೩೧, ೨೦೦೫ (ಚೈತ್ರ ೧೦, ಶಕ ವರ್ಷ ೧೯೨೭) | ಸಂಚಿಕೆ ೧೩ |
|---|---|---|

## ಭಾಗ - ೨

## ನೇಮಕಗಳು, ಸ್ಥಳ ನೇಮಕಗಳು, ವರ್ಗಾವಣೆಗಳು, ರಜೆ ಮತ್ತು ಅಧಿಕಾರಗಳು, ಕರ್ನಾಟಕ ಉಚ್ಚ ನ್ಯಾಯಾಲಯದ ಅಧಿಸೂಚನೆಗಳು.

### ಒಳಾಡಳಿತ ಸಚಿವಾಲಯ

### ಅಧಿಸೂಚನೆ

**ಸಂಖ್ಯೆ: ಒಇ 81 ಪಿಪಿಇ 2005, ಬೆಂಗಳೂರು, ದಿನಾಂಕ: 16ನೇ ಮಾರ್ಚ್ 2005**

ಗದಗ ಜಿಲ್ಲಾ ಮತ್ತು ಸತ್ರ ನ್ಯಾಯಾಲಯದಲ್ಲಿ ದಾಖಲಾಗಿರುವ ಸ್ಪೆಷಲ್ (ಎಸ್‌ಸಿ:ಎಸ್‌ಟಿ) ಸಿಸಿ.ಸಂಖ್ಯೆ: 1:2004 ರ ಕೌಂಟರ್ ಪ್ರಕರಣವಾದ ಎಸ್.ಸಿ. ಸಂಖ್ಯೆ: 8:2004ರ ಪ್ರಕರಣದಲ್ಲಿ ಸರ್ಕಾರದ ಪರವಾಗಿ ಹಾಜರಾಗಲು ಮತ್ತು ಪ್ರಕರಣವನ್ನು ನಡೆಸಲು ಧಾರವಾಡದ 2ನೇ ಅಪರ ಜಿಲ್ಲಾ ಮತ್ತು ಸತ್ರ ನ್ಯಾಯಾಲಯದ 2ನೇ ಅಪರ ಸರ್ಕಾರಿ ಅಭಿಯೋಜಕರನ್ನು ನೇಮಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 355

**ಹೆಚ್.ಕೆ. ಗುಂಡೂರಾವ್**

ಸರ್ಕಾರದ ಅಧೀನ ಕಾರ್ಯದರ್ಶಿ,

ಒಳಾಡಳಿತ ಇಲಾಖೆ (ಕಾ. ಮತ್ತು ಸು. ಮತ್ತು ಅಭಿಯೋಗಗಳು)

### ಅಧಿಸೂಚನೆ

**ಸಂಖ್ಯೆ: ಒಇ 82 ಪಿಪಿಇ 2005, ಬೆಂಗಳೂರು, ದಿನಾಂಕ: 16ನೇ ಮಾರ್ಚ್ 2005**

ಕೋಲಾರ 1ನೇ ಅಪರ ಜಿಲ್ಲಾ ಮತ್ತು ಸತ್ರ ನ್ಯಾಯಾಲಯದಲ್ಲಿ ದಾಖಲಾಗಿರುವ ಎಸ್.ಸಿ. ಸಂಖ್ಯೆ: 272:2001ರ ಕೌಂಟರ್ ಪ್ರಕರಣವಾದ ಎಸ್.ಸಿ. ಸಂಖ್ಯೆ: 56:2003ರ ಪ್ರಕರಣದಲ್ಲಿ ಸರ್ಕಾರದ ಪರವಾಗಿ ಹಾಜರಾಗಲು ಮತ್ತು ಪ್ರಕರಣವನ್ನು ನಡೆಸಲು ಕೋಲಾರದ ವಿಶೇಷ ಜಿಲ್ಲಾ ಮತ್ತು ಸತ್ರ ನ್ಯಾಯಾಲಯದ ಅಪರ ಸರ್ಕಾರಿ ಅಭಿಯೋಜಕರನ್ನು ನೇಮಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 356

**ಹೆಚ್.ಕೆ. ಗುಂಡೂರಾವ್**

ಸರ್ಕಾರದ ಅಧೀನ ಕಾರ್ಯದರ್ಶಿ,

ಒಳಾಡಳಿತ ಇಲಾಖೆ (ಕಾ. ಮತ್ತು ಸು. ಮತ್ತು ಅಭಿಯೋಗಗಳು)

### ಅಧಿಸೂಚನೆ

**ಸಂಖ್ಯೆ: ಒಇ 83 ಪಿಪಿಇ 2005, ಬೆಂಗಳೂರು, ದಿನಾಂಕ: 16ನೇ ಮಾರ್ಚ್ 2005**

ಧಾರವಾಡ ತ್ವರಿತ ವಿಲೇವಾರಿ ನ್ಯಾಯಾಲಯದಲ್ಲಿ ದಾಖಲಾಗಿರುವ ಎಸ್.ಸಿ. ಸಂಖ್ಯೆ: 77:2003ರ ಕೌಂಟರ್ ಪ್ರಕರಣವಾದ ಎಸ್.ಸಿ. ಸಂಖ್ಯೆ: 104:2003ರ ಪ್ರಕರಣದಲ್ಲಿ ಸರ್ಕಾರದ ಪರವಾಗಿ ಹಾಜರಾಗಲು ಮತ್ತು ಪ್ರಕರಣವನ್ನು ಧಾರವಾಡ 2ನೇ ಅಪರ ಜಿಲ್ಲಾ ಮತ್ತು ಸತ್ರ ನ್ಯಾಯಾಲಯದ 2ನೇ ಅಪರ ಸರ್ಕಾರಿ ಅಭಿಯೋಜಕರನ್ನು ನೇಮಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 357

**ಹೆಚ್.ಕೆ. ಗುಂಡೂರಾವ್**

ಸರ್ಕಾರದ ಅಧೀನ ಕಾರ್ಯದರ್ಶಿ,

ಒಳಾಡಳಿತ ಇಲಾಖೆ (ಕಾ. ಮತ್ತು ಸು. ಮತ್ತು ಅಭಿಯೋಗಗಳು)

**ಅಧಿಸೂಚನೆ**

**ಸಂಖ್ಯೆ: ಒಇ 84 ಪಿಪಿಇ 2005, ಬೆಂಗಳೂರು, ದಿನಾಂಕ: 16ನೇ ಮಾರ್ಚ್ 2005**

ಬಿಜಾಪುರದ 2ನೇ ಅಪರ ಜಿಲ್ಲಾ ಮತ್ತು ಸತ್ರ ನ್ಯಾಯಾಲಯದಲ್ಲಿ ದಾಖಲಾಗಿರುವ ಎಸ್.ಸಿ. ಸಂಖ್ಯೆ: 65:2003ರ ಕೌಂಟರ್ ಪ್ರಕರಣವಾದ ಎಸ್.ಸಿ. ಸಂಖ್ಯೆ: 87:2003ರ ಪ್ರಕರಣದಲ್ಲಿ ಸರ್ಕಾರದ ಪರವಾಗಿ ಹಾಜರಾಗಲು ಮತ್ತು ಪ್ರಕರಣವನ್ನು ನಡೆಸಲು ಬಿಜಾಪುರದ 1ನೇ ಅಪರ ಜಿಲ್ಲಾ ಮತ್ತು ಸತ್ರ ನ್ಯಾಯಾಲಯದ 1ನೇ ಅಪರ ಸರ್ಕಾರಿ ಅಭಿಯೋಜಕರನ್ನು ನೇಮಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 358

**ಹೆಚ್.ಕೆ. ಗುಂಡೂರಾವ್**

ಸರ್ಕಾರದ ಅಧೀನ ಕಾರ್ಯದರ್ಶಿ,

ಒಳಾಡಳಿತ ಇಲಾಖೆ (ಕಾ. ಮತ್ತು ಸು. ಮತ್ತು ಅಭಿಯೋಗಗಳು)

**ಅಧಿಸೂಚನೆ**

**ಸಂಖ್ಯೆ: ಒಇ 85 ಪಿಪಿಇ 2005, ಬೆಂಗಳೂರು, ದಿನಾಂಕ: 16ನೇ ಮಾರ್ಚ್ 2005**

ಮೈಸೂರಿನ 2ನೇ ತ್ವರಿತ ವಿಲೇವಾರಿ ನ್ಯಾಯಾಲಯದಲ್ಲಿ ದಾಖಲಾಗಿರುವ ಎಸ್.ಸಿ. ಸಂಖ್ಯೆ: 279:99ರ ಕೌಂಟರ್ ಪ್ರಕರಣವಾದ ಎಸ್.ಸಿ. ಸಂಖ್ಯೆ: 304:99ರ ಪ್ರಕರಣದಲ್ಲಿ ಸರ್ಕಾರದ ಪರವಾಗಿ ಹಾಜರಾಗಲು ಮತ್ತು ಪ್ರಕರಣವನ್ನು ನಡೆಸಲು ಮೈಸೂರಿನ 1ನೇ ತ್ವರಿತ ವಿಲೇವಾರಿ ನ್ಯಾಯಾಲಯದ ವಿಶೇಷ ಸರ್ಕಾರಿ ಅಭಿಯೋಜಕರನ್ನು ನೇಮಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 359

**ಹೆಚ್.ಕೆ. ಗುಂಡೂರಾವ್**

ಸರ್ಕಾರದ ಅಧೀನ ಕಾರ್ಯದರ್ಶಿ,

ಒಳಾಡಳಿತ ಇಲಾಖೆ (ಕಾ. ಮತ್ತು ಸು. ಮತ್ತು ಅಭಿಯೋಗಗಳು)

**ಅಧಿಸೂಚನೆ**

**ಸಂಖ್ಯೆ: ಒಇ 86 ಪಿಪಿಇ 2005, ಬೆಂಗಳೂರು, ದಿನಾಂಕ: 16ನೇ ಮಾರ್ಚ್ 2005**

ಮೈಸೂರಿನ 2ನೇ ತ್ವರಿತ ವಿಲೇವಾರಿ ನ್ಯಾಯಾಲಯದಲ್ಲಿ ದಾಖಲಾಗಿರುವ ಎಸ್.ಸಿ. ಸಂಖ್ಯೆ: 255:99ರ ಕೌಂಟರ್ ಪ್ರಕರಣವಾದ ಎಸ್.ಸಿ. ಸಂಖ್ಯೆ: 101:99ರ ಪ್ರಕರಣದಲ್ಲಿ ಸರ್ಕಾರದ ಪರವಾಗಿ ಹಾಜರಾಗಲು ಮತ್ತು ಪ್ರಕರಣವನ್ನು ನಡೆಸಲು ಮೈಸೂರಿನ 1ನೇ ತ್ವರಿತ ವಿಲೇವಾರಿ ನ್ಯಾಯಾಲಯದ ವಿಶೇಷ ಸರ್ಕಾರಿ ಅಭಿಯೋಜಕರನ್ನು ನೇಮಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 360

**ಹೆಚ್.ಕೆ. ಗುಂಡೂರಾವ್**

ಸರ್ಕಾರದ ಅಧೀನ ಕಾರ್ಯದರ್ಶಿ,

ಒಳಾಡಳಿತ ಇಲಾಖೆ (ಕಾ. ಮತ್ತು ಸು. ಮತ್ತು ಅಭಿಯೋಗಗಳು)

**ಅಧಿಸೂಚನೆ**

**ಸಂಖ್ಯೆ: ಒಇ 87 ಪಿಪಿಇ 2005, ಬೆಂಗಳೂರು, ದಿನಾಂಕ: 16ನೇ ಮಾರ್ಚ್ 2005**

ಬೆಂಗಳೂರು ಗ್ರಾಮಾಂತರ 1ನೇ ತ್ವರಿತ ವಿಲೇವಾರಿ ನ್ಯಾಯಾಲಯದಲ್ಲಿ ದಾಖಲಾಗಿರುವ ಎಸ್.ಸಿ. ಸಂಖ್ಯೆ: 139:2001ರ ಕೌಂಟರ್ ಪ್ರಕರಣವಾದ ಎಸ್.ಸಿ. ಸಂಖ್ಯೆ: 4:2004ರ ಪ್ರಕರಣದಲ್ಲಿ ಸರ್ಕಾರದ ಪರವಾಗಿ ಹಾಜರಾಗಲು ಮತ್ತು ಪ್ರಕರಣವನ್ನು ನಡೆಸಲು ಬೆಂಗಳೂರು ಗ್ರಾಮಾಂತರ 2ನೇ ತ್ವರಿತ ವಿಲೇವಾರಿ ನ್ಯಾಯಾಲಯದ ವಿಶೇಷ ಸರ್ಕಾರಿ ಅಭಿಯೋಜಕರನ್ನು ನೇಮಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 361

**ಹೆಚ್.ಕೆ. ಗುಂಡೂರಾವ್**

ಸರ್ಕಾರದ ಅಧೀನ ಕಾರ್ಯದರ್ಶಿ,

ಒಳಾಡಳಿತ ಇಲಾಖೆ (ಕಾ. ಮತ್ತು ಸು. ಮತ್ತು ಅಭಿಯೋಗಗಳು)

**ಅಧಿಸೂಚನೆ**

**ಸಂಖ್ಯೆ: ಒಇ 141 ಪಿಪಿಇ 2005, ಬೆಂಗಳೂರು, ದಿನಾಂಕ: 17ನೇ ಮಾರ್ಚ್ 2005**

ಬೆಂಗಳೂರು ಗ್ರಾಮಾಂತರ 1ನೇ ತ್ವರಿತ ವಿಲೇವಾರಿ ನ್ಯಾಯಾಲಯದಲ್ಲಿ ದಾಖಲಾಗಿರುವ ಎಸ್.ಸಿ. ಸಂಖ್ಯೆ: 231:98ರ ಕೌಂಟರ್ ಪ್ರಕರಣವಾದ ಎಸ್.ಸಿ. ಸಂಖ್ಯೆ: 76:2004ರ ಪ್ರಕರಣದಲ್ಲಿ ಸರ್ಕಾರದ ಪರವಾಗಿ ಹಾಜರಾಗಲು ಮತ್ತು ಪ್ರಕರಣವನ್ನು ನಡೆಸಲು ಬೆಂಗಳೂರು ಗ್ರಾಮಾಂತರ ಜಿಲ್ಲೆ 2ನೇ ಅಪರ ಜಿಲ್ಲಾ ಮತ್ತು ಸತ್ರ ನ್ಯಾಯಾಲಯದ 2ನೇ ಅಪರ ಸರ್ಕಾರಿ ಅಭಿಯೋಜಕರನ್ನು ನೇಮಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 362

**ಹೆಚ್.ಕೆ. ಗುಂಡೂರಾವ್**

ಸರ್ಕಾರದ ಅಧೀನ ಕಾರ್ಯದರ್ಶಿ,

ಒಳಾಡಳಿತ ಇಲಾಖೆ (ಕಾ. ಮತ್ತು ಸು. ಮತ್ತು ಅಭಿಯೋಗಗಳು)

**ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಸಿಆಸುಇ 97 ಸಅಸೇ 2005, ಬೆಂಗಳೂರು, ದಿನಾಂಕ: 19ನೇ ಮಾರ್ಚ್ 2005**

ಶ್ರೀ ಎನ್. ಬೋಸರಾಜು, ಶಾಸಕರು, ಇವರನ್ನು ಮಾನ್ಯ ಮುಖ್ಯ ಮಂತ್ರಿಯವರ ರಾಜಕೀಯ ಕಾರ್ಯದರ್ಶಿ ಹುದ್ದೆಯಲ್ಲಿ ತಕ್ಷಣದಿಂದ ಜಾರಿಗೆ ಬರುವಂತೆ ಹಾಗೂ ಮುಂದಿನ ಆದೇಶದವರೆಗೆ ಅಥವಾ ಮಾನ್ಯ ಮುಖ್ಯ ಮಂತ್ರಿಯವರ ಪದಾವಧಿಯವರೆಗೆ ಇವುಗಳಲ್ಲಿ ಯಾವುದು ಮೊದಲೋ ಅಲ್ಲಿಯವರೆಗೆ ಗುತ್ತಿಗೆ ಆಧಾರದ ಮೇಲೆ ನೇಮಿಸಲಾಗಿದೆ.

ಇವರ ಗುತ್ತಿಗೆ ಆಧಾರದ ನೇಮಕಾತಿಯ ಷರತ್ತು ಹಾಗೂ ನಿಬಂಧನೆಗಳ ಬಗ್ಗೆ ಪ್ರತ್ಯೇಕ ಆದೇಶವನ್ನು ಹೊರಡಿಸಲಾಗುವುದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 363

**ಯು.ಪಿ. ಪ್ರಭು**

ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಆಸುಇ (ಸೇವೆಗಳು-2)

## ಆಹಾರ, ನಾಗರೀಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಸಚಿವಾಲಯ

### ಅಧಿಸೂಚನೆ

**ಸಂಖ್ಯೆ: ಆನಾಸ 96 ಸಲಫ 2004, ಬೆಂಗಳೂರು, ದಿನಾಂಕ: 21ನೇ ಮಾರ್ಚ್ 2005**

ಗ್ರಾಹಕರ ಹಿತರಕ್ಷಣಾ ಅಧಿನಿಯಮ 1986ರ ಕಲಂ 10 ಮತ್ತು ಕರ್ನಾಟಕ ಗ್ರಾಹಕರ ರಕ್ಷಣಾ ನಿಯಮ 1988ರ ನಿಯಮ 3 ರಡಿಯಲ್ಲಿ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಭದ್ರೇಗೌಡ ಕೆ.ಹೆಚ್.ವಿ., ನಿವೃತ್ತ ಶಾಲಾ ಶಿಕ್ಷಕರು, ಪೂರ್ಣಾನಂದ ನಿಲಯ, ಸರ್ಕಾರಿ ಉರ್ದು ಪ್ರಾಥಮಿಕ ಶಾಲೆಯ ಸಮೀಪ, ವಿಜಯಪುರ ಬಡಾವಣೆ, ಚಿಕ್ಕಮಗಳೂರು ಇವರನ್ನು ಚಿಕ್ಕಮಗಳೂರು ಜಿಲ್ಲಾ ಗ್ರಾಹಕರ ವ್ಯಾಜ್ಯಗಳ ಪರಿಹಾರ ವೇದಿಕೆಯ ಸದಸ್ಯರ ಸ್ಥಾನಕ್ಕೆ ಪೂರ್ಣಕಾಲಿಕ ಸದಸ್ಯರನ್ನಾಗಿ ತಕ್ಷಣದಿಂದ ಜಾರಿಗೆ ಬರುವಂತೆ ಹಾಗೂ ಮುಂದಿನ ಆದೇಶದವರೆಗೆ ನೇಮಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 364

**ಎ.ಎಸ್. ವಿಶ್ವೇಶ್ವರಯ್ಯ**

ಪೀಠಾಧಿಕಾರಿ, ಆಹಾರ-3 ಶಾಖೆ,

ಆಹಾರ, ನಾಗರೀಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಇಲಾಖೆ.

## ನಗರಾಭಿವೃದ್ಧಿ ಸಚಿವಾಲಯ

### ಅಧಿಸೂಚನೆ

**ಸಂಖ್ಯೆ: ನಅಇ 141 ನಯೋಸೇ 04 (ಭಾಗ), ಬೆಂಗಳೂರು, ದಿನಾಂಕ: 19ನೇ ಮಾರ್ಚ್ 2005**

ದಿನಾಂಕ: 3.2.2005 ರ ಅಧಿಸೂಚನೆ ಸಂಖ್ಯೆ: ನಅಇ 141 ನಯೋಸೇ 04ರ ಕ್ರಮ ಸಂಖ್ಯೆ: 17 ರಲ್ಲಿ ಶ್ರೀ ಎಂ. ಮಂಜಪ್ಪ, ನಗರ ಯೋಜನಾ ಪರ್ಯವೇಕ್ಷಕ, ಇವರಿಗೆ ಮುಂಬಡ್ತಿ ನೀಡಿ ಕಿರಿಯ ನಗರ ಯೋಜಕರು ನಿಯೋಜನೆ ಮೇಲೆ ನಗರಾಭಿವೃದ್ಧಿ ಪ್ರಾಧಿಕಾರ, ಚಿತ್ರದುರ್ಗ ಇಲ್ಲಿನ ಖಾಲಿ ಹುದ್ದೆಗೆ ನೇಮಿಸಿರುವ ಆದೇಶವನ್ನು ಮಾರ್ಪಡಿಸಿ ಸದರಿಯವರನ್ನು ನಗರ ಯೋಜನಾ ಸಹಾಯಕ ನಿರ್ದೇಶಕರ ಕಛೇರಿ, ಚಿಕ್ಕಮಗಳೂರು, ಇಲ್ಲಿ ಖಾಲಿ ಇರುವ ಕಿರಿಯ ನಗರ ಯೋಜಕರ ಹುದ್ದೆಗೆ ತಕ್ಷಣದಿಂದ ಜಾರಿಗೆ ಬರುವಂತೆ ಹಾಗೂ ಮುಂದಿನ ಆದೇಶದವರೆಗೆ ನೇಮಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 365

**ಟಿ. ರಂಗನಾಥ್**

ಸರ್ಕಾರದ ಅಧೀನ ಕಾರ್ಯದರ್ಶಿ,

ನಗರಾಭಿವೃದ್ಧಿ ಇಲಾಖೆ.

## ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಸಚಿವಾಲಯ

### ಅಧಿಸೂಚನೆ

**ಸಂಖ್ಯೆ: ಸಿಆಸುಇ 132 ಸೆಅಸೆ 2005, ಬೆಂಗಳೂರು, ದಿನಾಂಕ: 21ನೇ ಮಾರ್ಚ್ 2005**

ಶ್ರೀಮತಿ ವಿ. ಮಂಜುಳಾ, ಐ.ಎ.ಎಸ್. ಆಯುಕ್ತರು, ಸಾರ್ವಜನಿಕ ಶಿಕ್ಷಣ ಇಲಾಖೆ, ಗುಲ್ಬರ್ಗಾ ಇವರಿಗೆ ದಿ: 14.3.2005 ರಿಂದ 31.5.2005 ರವರೆವಿಗೆ (ಉದಿಸೇ) ಒಟ್ಟು 79 ದಿನಗಳ ಗಳಿಕೆ ರಜೆಯನ್ನು ಮಂಜೂರು ಮಾಡಲಾಗಿದೆ.

ಶ್ರೀಮತಿ ವಿ. ಮಂಜುಳಾ, ಐ.ಎ.ಎಸ್. ರವರ ರಜಾ ಅವಧಿಯಲ್ಲಿ ಆಯುಕ್ತರು, ಸಾರ್ವಜನಿಕ ಶಿಕ್ಷಣ ಇಲಾಖೆ, ಬೆಂಗಳೂರು ಇವರನ್ನು ಸರ್ಕಾರದ ಆಯುಕ್ತರು, ಸಾರ್ವಜನಿಕ ಶಿಕ್ಷಣ ಇಲಾಖೆ, ಬೆಂಗಳೂರು ಇವರನ್ನು ಆಯುಕ್ತರು ಸಾರ್ವಜನಿಕ ಶಿಕ್ಷಣ ಇಲಾಖೆ, ಗುಲ್ಬರ್ಗಾ ಹುದ್ದೆಯ ಅಧಿಕ ಪ್ರಭಾರದಲ್ಲಿಡಲಾಗಿದೆ.

ಶ್ರೀಮತಿ ವಿ. ಮಂಜುಳ, ಐ.ಎ.ಎಸ್. ರವರು ರಜೆಯ ಮೇಲೆ ಹೋಗಿರದಿದ್ದರೆ, ಆಯುಕ್ತರು, ಸಾರ್ವಜನಿಕ ಶಿಕ್ಷಣ ಇಲಾಖೆ, ಗುಲ್ಬರ್ಗಾ ಹುದ್ದೆಯಲ್ಲೇ ಸ್ಥಾನಪನ್ನರಾಗಿರುತ್ತಿದ್ದರೆಂದು ದೃಢೀಕರಿಸಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 366

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಆಸುಇ (ಸೇವೆಗಳು-1)

### ಅಧಿಸೂಚನೆ

**ಸಂಖ್ಯೆ: ಸಿಆಸುಇ 135 ಸೆಅಸೆ 2005, ಬೆಂಗಳೂರು, ದಿನಾಂಕ: 19ನೇ ಮಾರ್ಚ್ 2005**

ಶ್ರೀ ಡಿ.ವಿ. ಪ್ರಸಾದ್, ಐ.ಎ.ಎಸ್. ಸರ್ಕಾರದ ಕಾರ್ಯದರ್ಶಿ, ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ (ವೈದ್ಯಕೀಯ ಶಿಕ್ಷಣ), ಇವರಿಗೆ ದಿ: 11.4.2005 ರಿಂದ 18.4.2005 ರವರೆವಿಗೆ (ಉದಿಸೇ) ಒಟ್ಟು 8 ದಿನಗಳ ಗಳಿಕೆ ರಜೆಯನ್ನು ಮಂಜೂರು ಮಾಡಲಾಗಿದೆ ಹಾಗೂ ರಜೆಯ ಮೊದಲು ದಿನಾಂಕ: 9.4.2005 ಮತ್ತು 10.4.2005 ರಂದು ಬರುವ ಸಾರ್ವತ್ರಿಕ ರಜೆಗಳನ್ನು ಉಪಯೋಗಿಸಿಕೊಳ್ಳಲೂ ಸಹ ಅನುಮತಿ ನೀಡಲಾಗಿದೆ.

ಶ್ರೀ ಡಿ.ವಿ. ಪ್ರಸಾದ್, ಐ.ಎ.ಎಸ್. ರವರ ರಜಾ ಅವಧಿಯಲ್ಲಿ ಸರ್ಕಾರದ ಪ್ರಧಾನ ಕಾರ್ಯದರ್ಶಿ, ಶಿಕ್ಷಣ ಇಲಾಖೆ (ಉನ್ನತ ಶಿಕ್ಷಣ), ಬೆಂಗಳೂರು ಇವರನ್ನು ಸರ್ಕಾರದ ಕಾರ್ಯದರ್ಶಿ, ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ (ವೈದ್ಯಕೀಯ ಶಿಕ್ಷಣ) ಹುದ್ದೆಯ ಪ್ರಭಾರದಲ್ಲಿಡಲಾಗಿದೆ.

ಶ್ರೀ ಡಿ.ವಿ. ಪ್ರಸಾದ್, ಐ.ಎ.ಎಸ್. ರವರು ರಜೆಯ ಮೇಲೆ ಹೋಗಿರದಿದ್ದರೆ, ಸರ್ಕಾರದ ಕಾರ್ಯದರ್ಶಿ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ (ವೈದ್ಯಕೀಯ ಶಿಕ್ಷಣ) ಹುದ್ದೆಯಲ್ಲೇ ಸ್ಥಾನಪನ್ನರಾಗಿರುತ್ತಿದ್ದರೆಂದು ದೃಢೀಕರಿಸಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 367

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಆಸುಇ (ಸೇವೆಗಳು-1)

**ಅಧಿಸೂಚನೆ**

**ಸಂಖ್ಯೆ: ಸಿಆಸುಇ 65 ಶಿಸನೇ 2005, ಬೆಂಗಳೂರು, ದಿನಾಂಕ: 24ನೇ ಮಾರ್ಚ್ 2005**

ಮಾನ್ಯ ಮುಖ್ಯ ಮಂತ್ರಿಯವರ ರಾಜಕೀಯ ಕಾರ್ಯದರ್ಶಿಯಾಗಿ ದಿನಾಂಕ: 19.3.2005 ರ ಅಧಿಸೂಚನೆ ಸಂಖ್ಯೆ: ಸಿಆಸುಇ 97 ಸಅಸೇ 2005 ರಲ್ಲಿ ನೇಮಕ ಮಾಡಿರುವ ಶ್ರೀ ಎನ್. ಬೋಸರಾಜು, ಶಾಸಕರು ಇವರಿಗೆ ಕೂಡಲೇ ಜಾರಿಗೆ ಬರುವಂತೆ ಸಂಪುಟ ದರ್ಜೆ ಸಚಿವರ ಸ್ಥಾನಮಾನವನ್ನು ನೀಡಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 368

**ವಿ.ಜೆ.ಎ. ಆಶೀರ್ವಾದಂ**

ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ (ರಾಜ್ಯ ಶಿಷ್ಟಾಚಾರ)

**ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಆಕುಕ 166 ಎಂಎಂಸಿ 2004, ಬೆಂಗಳೂರು, ದಿನಾಂಕ: 5ನೇ ಫೆಬ್ರವರಿ 2005**

ಬೆಂಗಳೂರಿನ ಸರ್ಕಾರಿ ದಂತ ಕಾಲೇಜಿನ ಓರಲ್ ಸರ್ಜರಿ ಪ್ರಾಧ್ಯಾಪಕರಾದ ಹಾಗೂ ಪ್ರಭಾರಿ ಪ್ರಾಂಶುಪಾಲರಾದ ಡಾ: ಜಯಪ್ರಸಾದ್ ಎನ್. ಶೆಟ್ಟಿ ರವರಿಗೆ ತಕ್ಷಣದಿಂದ ಜಾರಿಗೆ ಬರುವಂತೆ ಸರ್ಕಾರಿ ದಂತ ಕಾಲೇಜಿನ ಪ್ರಾಂಶುಪಾಲರ ಹುದ್ದೆಯಲ್ಲಿ ಸ್ಥಾನಾಪನ್ನರಾಗಲು ಬಡ್ತಿ ನೀಡಿ ಡಾ: ಎಸ್. ರಮಾನಂದ ಶೆಟ್ಟಿ ರವರ ಬಡ್ತಿ ಮೇಲೆ ವರ್ಗಾವಣೆಯಿಂದ ತೆರವಾದ ಸ್ಥಾನದಲ್ಲಿ ಮುಂದಿನ ಆದೇಶದವರೆಗೆ ನೇಮಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 369

**ಎಸ್. ನಾಗರಾಜು**

ಸರ್ಕಾರದ ಅಧೀನ ಕಾರ್ಯದರ್ಶಿ,

ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ (ವೈದ್ಯಕೀಯ ಶಿಕ್ಷಣ)

**ಅಧಿಸೂಚನೆ**

**ಸಂಖ್ಯೆ: ಆಕುಕ 1 ಎಂಸಿಎಲ್ 2005, ಬೆಂಗಳೂರು, ದಿನಾಂಕ: 25ನೇ ಫೆಬ್ರವರಿ 2005**

ಮೈಸೂರು ವೈದ್ಯಕೀಯ ಕಾಲೇಜಿನ ಈ ಕೆಳಕಂಡ ಉಪನ್ಯಾಸಕರುಗಳನ್ನು ಸ್ನಾತಕೋತ್ತರ ವೈದ್ಯಕೀಯ ಪದವಿ ಕೋರ್ಸಿಗೆ ಕರ್ನಾಟಕ ನಾಗರೀಕ ಸೇವಾ ನಿಯಮಾವಳಿಯ 61ನೇ ನಿಯಮದೊಂದಿಗೆ ಓದಲಾದ II-A-I ನೇ ಅಪೆಂಡಿಕ್ಸ್‌ನ ನಿಯಮಗಳ ಪ್ರಕಾರ ಬೆಂಗಳೂರು ವೈದ್ಯಕೀಯ ಕಾಲೇಜಿಗೆ ಮತ್ತು ಮೈಸೂರು ವೈದ್ಯಕೀಯ ಕಾಲೇಜಿಗೆ ನಿಯೋಜಿಸಲಾಗಿದ್ದು, ಅವರ ಸ್ನಾತಕೋತ್ತರ ವ್ಯಾಸಂಗ ಮುಕ್ತಾಯಗೊಂಡಿರುವುದರಿಂದ ಅವರುಗಳನ್ನು ಮೈಸೂರು ವೈದ್ಯಕೀಯ ಕಾಲೇಜಿನಲ್ಲಿ ಅನುಕ್ರಮವಾಗಿ ಅವರು ಹೊಂದಿದ್ದ ಉಪನ್ಯಾಸಕ ಹುದ್ದೆಗಳಲ್ಲಿ ಈ ತಕ್ಷಣದಿಂದ ಜಾರಿಗೆ ಬರುವಂತೆ ಮುಂದಿನ ಆದೇಶದವರೆಗೆ ನೇಮಿಸಲಾಗಿದೆ.

| ಕ್ರಮ ಸಂಖ್ಯೆ | ಹೆಸರು ಹೊಂದಿರುವ ಹುದ್ದೆಯ ಪದನಾಮ |
|---|---|
| 1 | ಡಾ: ಎಂ.ಪಿ. ಕುಮಾರ್, ವಿಧಿವೈದ್ಯಶಾಸ್ತ್ರ ಉಪನ್ಯಾಸಕ, ಮೈಸೂರು ವೈದ್ಯಕೀಯ ಕಾಲೇಜು, ಮೈಸೂರು |
| 2 | ಡಾ: ವಿ.ವೈ. ಶ್ರೀನಿವಾಸ, ಅರವಳಿಕೆ ಶಾಸ್ತ್ರ ಉಪನ್ಯಾಸಕ, ಮೈಸೂರು ವೈದ್ಯಕೀಯ ಕಾಲೇಜು, ಮೈಸೂರು |
| 3 | ಡಾ: ಗೋಪಾಲಕೃಷ್ಣ ಬಿ. ಹುಯಿಲ್‌ಗೋಸ್ ಪ್ರಸೂತಿ ಮತ್ತು ಸ್ತ್ರೀರೋಗ ಶಾಸ್ತ್ರ ಉಪನ್ಯಾಸಕ ಮೈಸೂರು ವೈದ್ಯಕೀಯ ಕಾಲೇಜು, ಮೈಸೂರು |

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 370

**ಎಸ್. ನಾಗರಾಜು**

ಸರ್ಕಾರದ ಅಧೀನ ಕಾರ್ಯದರ್ಶಿ,

ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ (ವೈದ್ಯಕೀಯ ಶಿಕ್ಷಣ)

**ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಸಿಆಸುಇ 46 ಆಸೇವ 2005, ಬೆಂಗಳೂರು, ದಿನಾಂಕ: 11ನೇ ಮಾರ್ಚ್ 2005**

ಸರ್ಕಾರದ ಉಪಕಾರ್ಯದರ್ಶಿ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಇಲಾಖೆ, ಬೆಂಗಳೂರು ಹುದ್ದೆಯಲ್ಲಿ ಕಾರ್ಯನಿರ್ವಹಿಸುತ್ತಿರುವ ಕೆ.ಎ.ಎಸ್. (ಹಿರಿಯ ಶ್ರೇಣಿ) ಅಧಿಕಾರಿ, ಶ್ರೀರಾಮಾಂಜನೇಯ, ಇವರನ್ನು ಸಾರ್ವಜನಿಕ ಹಿತದೃಷ್ಟಿಯಿಂದ ತಕ್ಷಣದಿಂದ ಜಾರಿಗೆ ಬರುವಂತೆ ಹಾಗೂ ಮುಂದಿನ ಆದೇಶದವರೆಗೆ ವರ್ಗಾಯಿಸಿ ಮುಖ್ಯ ಆಡಳಿತಾಧಿಕಾರಿ, ಕರ್ನಾಟಕ ನೀರಾವರಿ ನಿಗಮ ನಿಯಮಿತ, ಧಾರವಾಡ - ಖಾಲಿ ಹುದ್ದೆಗೆ ನೇಮಿಸಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 372

**ಯು.ಪಿ. ಪ್ರಭು**

ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ (ಸೇವೆಗಳು-2)